ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 16ನೇ ಮಾರ್ಚ್, 2020

ರಾಜ್ಯದಲ್ಲಿ ಇರುವ ಸಮುದಾಯ ಆರೋಗ್ಯ ಕೇಂದ್ರಗಳ ಕುರಿತು

ಶ್ರೀ ಹೆಚ್. ಎಂ. ರಮೇಶಗೌಡ (ವಿಧಾನಸಭೆಯಿಂದ ಚುನಾಯಿತರಾದವರು):-

991 (1182) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿರುವ ಸಮುದಾಯ ಆರೋಗ್ಯ ಕೇಂದ್ರಗಳ ಸಂಖ್ಯೆ ಎಷ್ಟು ; ಹಾಗೂ ಕರ್ತವ್ಯ ನಿರ್ವಹಿಸುತ್ತಿರುವ ವೈದ್ಯರ ಸಂಖ್ಯೆ ಎಷ್ಟು ; ಹಾಗೂ ವೈದ್ಯರ ಕೊರತೆ ಇರುವ ಕಡೆ ಸರ್ಕಾರ ಯಾವ ಕ್ರಮ ಕೈಗೊಂಡಿದೆ ; (ವಿವರ ನೀಡುವುದು)

(ಆ) ವೈದ್ಯರು ಸಮಯಕ್ಕೆ ಸರಿಯಾಗಿ ಕೆಲಸಕ್ಕೆ ಹಾಜರಾಗದೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಕೈಗೊಂಡ ಕ್ರಮಗಳೇನು ;

(ಇ) ಕೆಲವು ಆಸ್ಪತ್ರೆಗಳಲ್ಲಿ ಶುಶ್ರೂಷಕಿಯರೆ ವೈದ್ಯರಂತೆ ಕರ್ತವ್ಯ ನಿರ್ವಹಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಸರ್ಕಾರ ಕೈಗೊಂಡ ಕ್ರಮಗಳೇನು ?